<u>ಕರ್ನಾಟಕ ವಿಧಾನ ಪರಿಷತ್</u>

15ನೇ ವಿಧಾನಸಭೆ

4ನೇ ಅಧಿವೇಶನ

| | |
|---|---|
| ಚುಕ್ಕೆ ರಹಿತ ಗುರುತಿನ ಪ್ರಶ್ನೆ ಸಂಖ್ಯೆ | 877 |
| ಮಾನ್ಯ ಸದಸ್ಯರ ಹೆಸರು | ಶ್ರೀ ಹೆಚ್.ಎಂ.ರಮೇಶ ಗೌಡ |
| ಉತ್ತರಿಸಬೇಕಾದ ಸಚಿವರು | ಮಾನ್ಯ ಉಪಮುಖ್ಯಮಂತ್ರಿಗಳು (ಉನ್ನತ ಶಿಕ್ಷಣ) |
| ಉತ್ತರಿಸಬೇಕಾದ ದಿನಾಂಕ | 28.09.2019 |

| | ಪ್ರಶ್ನೆ | ಉತ್ತರ |
|---|---|---|
| ಅ | ಕೋವಿಡ್ ಲಾಕ್‌ಡೌನ್‌ನಿಂದಾಗಿ ರಾಜ್ಯದ ಬಹುತೇಕ ಉನ್ನತ ಶಿಕ್ಷಣ ಸಂಸ್ಥೆಗಳು ಪ್ರಸಕ್ತ ಶೈಕ್ಷಣಿಕ ವರ್ಷದಲ್ಲಿ ತರಗತಿಗಳನ್ನು ನಡೆಸಿಲ್ಲವಾದ ಕಾರಣ ಉನ್ನತ ಶಿಕ್ಷಣ ಪಡೆಯುವ ಯುವಕ ಯುವತಿಯರ ಮುಂದಿನ ಸ್ಥಿತಿಯೇನು (ವಿವರ ನೀಡುವುದು) | ಲಾಕ್‌ಡೌನ್ ಅವಧಿಯಲ್ಲಿ ಉನ್ನತ ಶಿಕ್ಷಣ ಹಾಗೂ ಸಾಕ್ಷರತೆ ಮಾನವ ಸಂಪನ್ಮೂಲ ಅಭಿವೃದ್ಧಿ ಇಲಾಖೆಯ ಮಾರ್ಗಸೂಚಿಗಳನ್ವಯ ರಾಜ್ಯದ ಎಲ್ಲಾ ಸರ್ಕಾರಿ/ಖಾಸಗಿ ಅನುದಾನಿತ ಪದವಿ ಕಾಲೇಜುಗಳಲ್ಲಿ/ ವಿಶ್ವವಿದ್ಯಾಲಯಗಳಲ್ಲಿ ಆನ್-ಲೈನ್ ತರಗತಿಗಳನ್ನು ನಡೆಸುವ ಬಗ್ಗೆ ಹಾಗೂ ಇತರೆ ಶೈಕ್ಷಣಿಕವಾಗಿ ಕಾರ್ಯನಿರ್ವಹಿಸುವ ಕುರಿತು ಮಾರ್ಗಸೂಚಿಗಳನ್ವಯ ತರಗತಿಗಳನ್ನು ನಡೆಸಲಾಗುತ್ತಿದೆ. ಅದರಂತೆ ಉನ್ನತ ಶಿಕ್ಷಣ ಪಡೆಯುವ ವಿದ್ಯಾರ್ಥಿಗಳಿಗೆ ಶೈಕ್ಷಣಿಕವಾಗಿ ಯಾವುದೇ ರೀತಿ ತೊಂದರೆಯಾಗದಂತೆ ಕ್ರಮವಹಿಸಲಾಗಿದೆ. |
| ಆ | ಉನ್ನತ ಶಿಕ್ಷಣ ಪಡೆಯುವ ಬಯಸುವ ವಿದ್ಯಾರ್ಥಿಗಳು ಈ ಶೈಕ್ಷಣಿಕ ವರ್ಷದ ತರಗತಿಗಳನ್ನು ಮತ್ತೆ ಪಡೆಯಲು ಸರ್ಕಾರ ಅವಕಾಶ ಮಾಡಿಕೊಡಲಿದೆಯೇ: | 2020-21ನೇ ಶೈಕ್ಷಣಿಕ ವರ್ಷದ ಪ್ರವೇಶಾತಿ ಪ್ರಕ್ರಿಯೆ ಪ್ರಾರಂಭಗೊಂಡಿದ್ದು, ತರಗತಿ ಪ್ರಾರಂಭ ಕುರಿತು ಯು.ಜಿ.ಸಿಯ ಮಾರ್ಗಸೂಚಿಗಳನ್ವಯ ತರಗತಿಗಳು ನಡೆಸಲಾಗುವುದು. |

| | | |
|---|---|---|
| ಇ | ಪ್ರಾಥಮಿಕ ಮತ್ತು ಪ್ರೌಢ ಶಿಕ್ಷಣದ ವಿದ್ಯಾರ್ಥಿಗಳಂತೆಯೇ ಉನ್ನತ ಶಿಕ್ಷಣದ ವಿದ್ಯಾರ್ಥಿಗಳಿಗೂ ಆನ್ ಲೈನ್ ಬೋಧನೆಯ ಪ್ರಸ್ತಾವನೆ ಸರ್ಕಾರದ ಮುಂದೆ ಇದೆಯೇ? | ಉನ್ನತ ಶಿಕ್ಷಣ ಇಲಾಖೆ ವ್ಯಾಪ್ತಿಯ ಸರ್ಕಾರಿ/ಖಾಸಗಿ ಅನುದಾನಿತ ಪದವಿ ಕಾಲೇಜುಗಳು/ವಿಶ್ವವಿದ್ಯಾಲಯಗಳ ವಿದ್ಯಾರ್ಥಿಗಳಿಗೆ ಆನ್‌ಲೈನ್ ಬೋಧನ ತರಗತಿಗಳನ್ನು ನಿರ್ವಹಿಸಲಾಗಿರುತ್ತದೆ.<br>ಯೂಟೂಬ್ ಚಾನಲ್ ಜ್ಞಾನನಿಧಿಯಲ್ಲಿ ವಿವಿಧ ವಿಶ್ವವಿದ್ಯಾಲಯಗಳ ಪಠ್ಯಕ್ರಮಕ್ಕನುಗುಣವಾಗಿ ಸುಮಾರು 18,000/- ವಿಡಿಯೋಗಳನ್ನು ಅಪ್ ಲೋಡ್ ಮಾಡಲಾಗಿದ್ದು, ಸರ್ಕಾರಿ/ಖಾಸಗಿ ಅನುದಾನಿತ ಹಾಗೂ ಇನ್ನಿತರ ಆಸಕ್ತ ವಿದ್ಯಾರ್ಥಿಗಳು ಇದರ ಸದುಪಯೋಗ ಪಡೆದುಕೊಳ್ಳಲು ಕ್ರಮವಹಿಸಲಾಗಿದೆ.<br>ಇಲಾಖಾ ವ್ಯಾಪ್ತಿಯ ಸರ್ಕಾರಿ ಪ್ರಥಮ ದರ್ಜೆ ಕಾಲೇಜುಗಳಲ್ಲಿ ಬಾಕಿ ಇರುವ ಪಠ್ಯ ಕ್ರಮಕ್ಕೆ ಅನುಗುಣವಾಗಿ ವಿದ್ಯಾರ್ಥಿಗಳಿಗೆ ಸ್ಥಳೀಯವಾಗಿ ಅಂದಾಜು 60,000 ಆನ್ ಲೈನ್ ತರಗತಿಗಳನ್ನು ಉಪನ್ಯಾಸಕರ **(Zoom, Whats app, google meet & web ex** ಇತ್ಯಾದಿಗಳನ್ನು ಮುಖಾಂತರ) ನಡೆಸಲಾಗಿರುತ್ತದೆ. |
| ಈ | ಉನ್ನತ ಶಿಕ್ಷಣದ ವಿದ್ಯಾರ್ಥಿಗಳಿಗೆ ಈ ಶೈಕ್ಷಣಿಕ ವರ್ಷದ ಪರೀಕ್ಷೆಗಳನ್ನು ರದ್ದು ಮಾಡಲಾಗಿದೆಯೇ: ಉನ್ನತ ಶಿಕ್ಷಣದ ವಿದ್ಯಾರ್ಥಿಗಳಿಗೆ 2020ರ ಶೈಕ್ಷಣಿಕ ವರ್ಷವೇ ಇಲ್ಲವೇ? (ವಿವರ ನೀಡುವುದು) | ಯು.ಜಿ.ಸಿಯು ವಿಶ್ವವಿದ್ಯಾಲಯಗಳು ಮತ್ತು ಶಿಕ್ಷಣ ಸಂಸ್ಥೆಗಳು ಅಂತಿಮ ವರ್ಷದ ಟರ್ಮಿನಲ್ ಪರೀಕ್ಷೆಗಳನ್ನು ಸೆಪ್ಟೆಂಬರ್ 2020ರೊಳಗಾಗಿ ಪೂರ್ಣಗೊಳಿಸುವಂತೆ ಹೊರಡಿಸಲಾದ ಮಾರ್ಗಸೂಚಿಗಳನ್ವಯ, ರಾಜ್ಯದ ಎಲ್ಲಾ ವಿಶ್ವವಿದ್ಯಾಲಯ ವ್ಯಾಪ್ತಿಗೆ ಒಳಪಡುವ ಸರ್ಕಾರಿ/ಖಾಸಗಿ ಅನುದಾನಿತ ಪದವಿ ಕಾಲೇಜುಗಳ ವಿದ್ಯಾರ್ಥಿಗಳಿಗೆ ಸೆಮಿಸ್ಟರ್ ಪರೀಕ್ಷೆಯನ್ನು ವಿಶ್ವವಿದ್ಯಾಲಯಗಳ ಹಂತದಲ್ಲಿ ನಡೆಸಲಾಗುತ್ತಿದೆ. |

**ಇಡಿ/13/ಅಅವಿ/2020**

(ಡಾ.ಅಶ್ವತ್ಥನಾರಾಯಣ ಸಿ.ಎನ್)
ಉಪಮುಖ್ಯಮಂತ್ರಿಗಳು
ಉನ್ನತ ಶಿಕ್ಷಣ, ವಿದ್ಯುನ್ಮಾನ, ಐಟಿ-ಬಿಟಿ
ಮತ್ತು ವಿಜ್ಞಾನ ಮತ್ತು ತಂತ್ರಜ್ಞಾನ-ಕೌಶಲ್ಯಾಭಿವೃದ್ಧಿ,
ಜೀವನೋಪಾಯ ಹಾಗೂ ಉದ್ಯಮಶೀಲತೆ ಇಲಾಖೆ